# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 11(36)
ಸದಸ್ಯರ ಹೆಸರು : ಶ್ರೀ ಎಸ್.ಎಲ್.ಭೋಜೇಗೌಡ (ಶಿಕ್ಷಕರ ಕ್ಷೇತ್ರ)
ಉತ್ತರಿಸುವ ದಿನಾಂಕ : 13-12-2021
ಉತ್ತರಿಸುವ ಸಚಿವರು : ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರು.

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ | ಅನುದಾನಿತ ಶಾಲೆಗಳಲ್ಲಿ ಸರ್ಕಾರಿ ಶಾಲೆಗಳಂತೆ ಅತಿಥಿ ಶಿಕ್ಷಕರನ್ನು ನೇಮಕ ಮಾಡಿಕೊಳ್ಳದಿರಲು ಕಾರಣಗಳೇನು: | ಕರ್ನಾಟಕ ಶಿಕ್ಷಣ ಕಾಯ್ದೆ-1983ರ ನಿಯಮಗಳಲ್ಲಿ ಖಾಸಗಿ ಅನುದಾನಿತ ಶಾಲೆಗಳಿಗೆ ಅತಿಥಿ ಶಿಕ್ಷಕರನ್ನು ನೇಮಕ ಮಾಡಿಕೊಳ್ಳಲು ಅವಕಾಶ ಕಲ್ಪಿಸಿರುವುದಿಲ್ಲ. |
| ಆ | ಸರ್ಕಾರಿ ಶಾಲೆಗಳ ವಿದ್ಯಾರ್ಥಿಗಳಿಗೆ ನೀಡುವ ಸವಲತ್ತುಗಳನ್ನು ಅನುದಾನಿತ ಶಾಲೆಗಳ ವಿದ್ಯಾರ್ಥಿಗಳಿಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ:(ವಿವರ ನೀಡುವುದು) | ಬಂದಿದೆ<br><br>ಖಾಸಗಿ ಅನುದಾನಿತ ಸಹಿತ ಶಾಲಾ ವಿದ್ಯಾರ್ಥಿಗಳಿಗೆ ಪಠ್ಯ ಪುಸ್ತಕ, ವಿದ್ಯಾರ್ಥಿ ವೇತನ, ಮಧ್ಯಾಹ್ನ ಉಪಹಾರ ಯೋಜನೆ, ಬೈಸಿಕಲ್ ಸೌಲಭ್ಯಗಳನ್ನು ವಿತರಿಸಲಾಗಿದೆ. |
| ಇ | ಸರ್ಕಾರಿ ಶಾಲೆಗಳಿಗೆ ನೀಡಿರುವ ವೈದ್ಯಕೀಯ ಸೌಲಭ್ಯಗಳನ್ನು ಅನುದಾನಿತ ಶಾಲೆ ಶಿಕ್ಷಕರಿಗೆ ವಿಸ್ತರಿಸಲು ಕ್ರಮ ಕೈಗೊಳ್ಳಲಾಗುವುದೇ? | ಖಾಸಗಿ ಅನುದಾನಿತ ಶಾಲಾ ಶಿಕ್ಷಕರು ಕರ್ನಾಟಕ ಶಿಕ್ಷಣ ಅಧಿನಿಯಮ-1983 ಮತ್ತು ಅದರಡಿ ರಚಿಸಲ್ಪಟ್ಟ ಕರ್ನಾಟಕ ಶಿಕ್ಷಣ ಸಂಸ್ಥೆಗಳ (classification, regulation and prescription of curricula) ನಿಯಮಗಳು, 1995ರ ವ್ಯಾಪ್ತಿಗೆ ಒಳಪಡುತ್ತಾರೆ. ಇವರನ್ನು ಸರ್ಕಾರಿ ನೌಕರರೆಂದು ಪರಿಗಣಿಸಲಾಗುವುದಿಲ್ಲ.<br><br>ಮುಂದುವರೆದು ಖಾಸಗಿ ಅನುದಾನಿತ ಶಿಕ್ಷಣ ಸಂಸ್ಥೆಗಳ ಶಿಕ್ಷಕರು ಕರ್ನಾಟಕ ಸರ್ಕಾರಿ ನೌಕರರ(ವೈದ್ಯಕೀಯ ಹಾಜರಾತಿ) ನಿಯಮಗಳು-1963 ವ್ಯಾಪ್ತಿಗೆ ಒಳಪಡುವುದಿಲ್ಲ ಹಾಗೂ ಕರ್ನಾಟಕ ಶಿಕ್ಷಣ ಸಂಸ್ಥೆಗಳು (ಖಾಸಗಿ ಅನುದಾನಿತ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಂಸ್ಥೆಗಳ ನೌಕರರ ನೇಮಕಾತಿ ಹಾಗೂ ಸೇವಾ ಷರತ್ತು ಹಾಗೂ ನಿಬಂಧನೆಗಳು)ನಿಯಮಗಳು-1999ರ ನಿಯಮ-ii (3)ರನ್ವಯ ವೈದ್ಯಕೀಯ ವೆಚ್ಚ ಮರುಪಾವತಿ ಸೌಲಭ್ಯಕ್ಕೂ ಅರ್ಹರಾಗಿರುವುದಿಲ್ಲ. |

ಇಪಿ 453 ಎಸ್ಇಎಸ್ 2021

(ಬಿ.ಸಿ.ನಾಗೇಶ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ
ಹಾಗೂ ಸಕಾಲ ಸಚಿವರು